ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಸೋಮವಾರ, ದಿನಾಂಕ : 01 ನೇ ಫೆಬ್ರುವರಿ, 2021

1995ರ ನಂತರ ಆರಂಭವಾದ ಶಾಲೆಗಳನ್ನು ಅನುದಾನಕ್ಕೆ ಒಳಪಡಿಸುವ ಬಗ್ಗೆ

ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ) -

23 (155) ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ರಾಜ್ಯದಲ್ಲಿ 1995ರ ನಂತರ ಇಲ್ಲಿಯವರೆಗೆ ಅಂದರೆ 2021ರವರೆಗೆ ಆರಂಭವಾದ ಕನ್ನಡ ಮಾಧ್ಯಮ ಅನುದಾನ ರಹಿತ ಪ್ರಾಥಮಿಕ ಪ್ರೌಢ ಹಾಗೂ ಪದವಿ ಪೂರ್ವ ಕಾಲೇಜುಗಳ ಸಂಖ್ಯೆ ಎಷ್ಟು ;

(ಆ) ಸದರಿ ಶಾಲಾ ಕಾಲೇಜುಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಶಿಕ್ಷಕ/ಉಪನ್ಯಾಸಕರ ಸಂಖ್ಯೆ ಎಷ್ಟು ;

(ಇ) ಸದರಿ ಶಾಲಾ ಕಾಲೇಜುಗಳನ್ನು ಅನುದಾನಕ್ಕೆ ಒಳಪಡಿಸಲು ತಗಲಬಹುದಾದ ಆರ್ಥಿಕ ವೆಚ್ಚ ಎಷ್ಟು ;

(ಈ) 1995ರ ನಂತರ ಆರಂಭವಾದ ಅನುದಾನ ರಹಿತ ಶಾಲಾ ಕಾಲೇಜುಗಳನ್ನು ಅನುದಾನಕ್ಕೆ ಒಳಪಡಿಸಲು ಬೇಡಿಕೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಈ ಬೇಡಿಕೆ ಕುರಿತು ಸರ್ಕಾರ ಕ್ರಮ ವಹಿಸುವುದೇ ; ಕ್ರಮ ವಹಿಸಿದಲ್ಲಿ ಯಾವ ವರ್ಷದವರೆಗೆ ಅನುದಾನಕ್ಕೆ ಒಳಪಡಿಸಲು ಸರ್ಕಾರ ಚಿಂತಿಸಿದೆ?